# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 229 |
| ಸದಸ್ಯರ ಹೆಸರು | ಶ್ರೀ ಎಸ್.ಎಲ್.ಭೋಜೇಗೌಡ<br>(ಶಿಕ್ಷಕರ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 04-03-2020 |
| ಉತ್ತರಿಸುವ ಸಚಿವರು | ಕಂದಾಯ ಸಚಿವರು |

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | 2019-20ನೇ ಸಾಲಿನಲ್ಲಿ ಹೊಸದಾಗಿ 12 ತಾಲ್ಲೂಕುಗಳನ್ನು ರಚಿಸಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಹೌದು |
| ಆ) | ಬಂದಿದ್ದಲ್ಲಿ ತಾಲ್ಲೂಕು ಕಚೇರಿಗಳನ್ನು ಹಾಗೂ ಎಲ್ಲಾ ಇಲಾಖೆಗಳ ತಾಲ್ಲೂಕು ಮಟ್ಟದ ಕಚೇರಿಗಳನ್ನು ತೆರೆಯಲಾಗಿದೆಯೇ; (ವಿವರ ನೀಡುವುದು) | 2019-20ನೇ ಸಾಲಿನ ಆಯವ್ಯಯ ಭಾಷಣದಲ್ಲಿ ಘೋಷಿಸಲಾದಂತೆ 12 ಹೊಸ ತಾಲ್ಲೂಕುಗಳನ್ನು ರಚಿಸಲು ಸರ್ಕಾರದ ಆದೇಶ ಸಂಖ್ಯೆ: ಕಂಇ 25 ಭೂದಾಮ 2019, ದಿನಾಂಕ:28-02-2019ರಲ್ಲಿ ತಾತ್ವಿಕವಾಗಿ ಆಡಳಿತಾತ್ಮಕ ಅನುಮೋದನೆ ನೀಡಲಾಗಿದೆ.<br>ಸದರಿ ಆದೇಶದಲ್ಲಿ ಕಂದಾಯ ಇಲಾಖೆ ವತಿಯಿಂದ ಹೊಸ ತಾಲ್ಲೂಕು ಕಚೇರಿಯನ್ನು ತೆರೆಯಲು ಮತ್ತು ಇತರೆ ಇಲಾಖೆಗಳು ತಾಲ್ಲೂಕು ಮಟ್ಟದ ಕಚೇರಿಗಳನ್ನು ಆರ್ಥಿಕ ಇಲಾಖೆಯ ಸಹಮತಿಯೊಂದಿಗೆ ಹಂತ ಹಂತವಾಗಿ ತೆರೆಯಲು ಸಹ ಅನುಮತಿ ನೀಡಲಾಗಿದೆ. ಈ ನೂತನ ತಾಲ್ಲೂಕುಗಳಿಗೆ ಸಂಬಂಧಿಸಿದಂತೆ ಇನ್ನೂ ಅಂತಿಮ ಅಧಿಸೂಚನೆ ಹೊರಡಿಸಿರುವುದಿಲ್ಲ. ಅಂತಿಮ ಅಧಿಸೂಚನೆ ಹೊರಡಿಸಿದ ನಂತರ ಸಂಬಂಧಪಟ್ಟ ಇಲಾಖೆಗಳ ವತಿಯಿಂದ ತಾಲ್ಲೂಕು ಮಟ್ಟದ ಕಚೇರಿಗಳನ್ನು ಪ್ರಾರಂಭಿಸಬೇಕಾಗಿರುತ್ತದೆ. |
| ಇ) | ಇಲ್ಲದಿದ್ದಲ್ಲಿ ತೆರೆಯಲು ಯಾವ ಕ್ರಮ ಕೈಗೊಳ್ಳಲಾಗಿದೆ ಹಾಗೂ ಯಾವ ಕಾಲಮಿತಿಯೊಳಗೆ ಪೂರ್ಣಗೊಳಿಸಲಾಗುವುದು; | |
| ಈ) | ತಾಲ್ಲೂಕಿಗೆ ಒಳಪಡುವ ಹೋಬಳಿ ಕೇಂದ್ರಗಳು ಹಾಗೂ ಗ್ರಾಮಗಳನ್ನು ಗುರುತಿಸಲಾಗಿದೆಯೇ? | ನೂತನ 12 ತಾಲ್ಲೂಕುಗಳ ವ್ಯಾಪ್ತಿಗೆ ಯಾವ ಯಾವ ಗ್ರಾಮಗಳನ್ನು ಸೇರಿಸಬೇಕು ಎಂಬ ಕುರಿತು ಹಿಂದಿನ ತಾಲ್ಲೂಕು ಪುನರ್ ರಚನೆ ಸಮಿತಿಯ ಶಿಫಾರಸ್ಸು ಹಾಗೂ ಇತ್ತೀಚಿನ ಬೆಳವಣಿಗೆಗಳ ಹಿನ್ನೆಲೆಯಲ್ಲಿ ಜಿಲ್ಲಾ ಉಸ್ತುವಾರಿ ಸಚಿವರು ಹಾಗೂ ಸಂಬಂಧಪಟ್ಟ ಶಾಸಕರು ಮತ್ತು ಸ್ಥಳೀಯ ಜನಪ್ರತಿನಿಧಿಗಳೊಂದಿಗೆ ಸಮಾಲೋಚನೆ ಸಭೆ ನಡೆಸಿ ವರದಿ ಸಲ್ಲಿಸುವಂತೆ ಆಯಾ ಜಿಲ್ಲೆಯ ಜಿಲ್ಲಾಧಿಕಾರಿಯವರನ್ನು ಕೋರಲಾಗಿದೆ. |

| | | |
|---|---|---|
| | | ವಿಜಯಪುರ ಜಿಲ್ಲೆಯ ಅಲಮೇಲ, ದಕ್ಷಿಣ ಕನ್ನಡ ಜಿಲ್ಲೆಯ ಉಲ್ಲಾಳ ಮತ್ತು ಮುಲ್ಕಿ, ಮೈಸೂರು ಜಿಲ್ಲೆಯ ಸಾಲಿಗ್ರಾಮ, ಕೊಡಗು ಜಿಲ್ಲೆಯ ಪೊನ್ನಂಪೇಟೆ, ರಾಮನಗರ ಜಿಲ್ಲೆಯ ಹಾರೋಹಳ್ಳಿ ಮತ್ತು ಚಿಕ್ಕಮಗಳೂರು ಜಿಲ್ಲೆಯ ಕಳಸಾ ತಾಲ್ಲೂಕುಗಳಿಗೆ ಪ್ರಾಥಮಿಕ ಅಧಿಸೂಚನೆ ಹೊರಡಿಸಲು ಆಯಾ ಜಿಲ್ಲಾಧಿಕಾರಿಗಳಿಂದ ಪ್ರಸ್ತಾವನೆ ಸ್ವೀಕೃತವಾಗಿರುತ್ತದೆ. ಅದರಂತೆ ಅಲಮೇಲ ಮತ್ತು ಉಲ್ಲಾಳ ತಾಲ್ಲೂಕುಗಳ ಪ್ರಾಥಮಿಕ ಅಧಿಸೂಚನೆ ಹೊರಡಿಸಲಾಗಿದೆ. ಮುಲ್ಕಿ, ಸಾಲಿಗ್ರಾಮ, ಪೊನ್ನಂಪೇಟೆ, ಹಾರೋಹಳ್ಳಿ ಹಾಗೂ ಕಳಸಾ ತಾಲ್ಲೂಕುಗಳ ಪ್ರಾಥಮಿಕ ಅಧಿಸೂಚನೆ ಹೊರಡಿಸುವ ಪ್ರಸ್ತಾವನೆ ಸರ್ಕಾರದ ಪರಿಶೀಲನೆಯಲ್ಲಿದೆ. ಇನ್ನುಳಿದ ತಾಲ್ಲೂಕುಗಳ ಕುರಿತು ಆಯಾ ಜಿಲ್ಲಾಧಿಕಾರಿಗಳಿಂದ ಪ್ರಸ್ತಾವನೆ ಸ್ವೀಕೃತವಾದ ನಂತರ ಪ್ರತ್ಯೇಕ ಅಧಿಸೂಚನೆ ಹೊರಡಿಸಲು ನಿಯಮಾನುಸಾರ ಕ್ರಮ ಕೈಗೊಳ್ಳಲಾಗುವುದು. |

**ಸಂಖ್ಯೆ: ಆರ್‌ಡಿ 22 ಎಸ್‌ಎಸ್‌ಸಿ 2020**

**(ಆರ್. ಅಶೋಕ)**
ಕಂದಾಯ ಸಚಿವರು